ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**
ನೂರ ನಲವತ್ತೆರಡನೆಯ ಅಧಿವೇಶನ
ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಗ್ರಾಮ ಪಂಚಾಯತಿಗಳಲ್ಲಿ ಘನತ್ಯಾಜ್ಯ ನಿರ್ವಹಣೆ ಕುರಿತು

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

438(513) ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಗ್ರಾಮ ಪಂಚಾಯತಿಗಳ ವ್ಯಾಪ್ತಿಯಲ್ಲಿ ಘನತ್ಯಾಜ್ಯ ನಿರ್ವಹಣೆಯು ಒಂದು ದೊಡ್ಡ ಸಮಸ್ಯೆಯಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಕೇಂದ್ರ ಸರ್ಕಾರದಿಂದ ರಾಜ್ಯ ಸರ್ಕಾರಕ್ಕೆ ಗ್ರಾಮಗಳ ಘನತ್ಯಾಜ್ಯ ನಿರ್ವಹಣೆಗಾಗಿ ಬಿಡುಗಡೆಯಾದ ಹಣವೆಷ್ಟು;

(ಇ) ಕಳೆದ ವರ್ಷ ರಾಜ್ಯದ ಎಷ್ಟು ಗ್ರಾಮಗಳಲ್ಲಿ ಈ ಘನತ್ಯಾಜ್ಯ ಸಂಸ್ಕರಣಾ ಘಟಕ/ನಿರ್ವಹಣೆಯ ವ್ಯವಸ್ಥೆ ಮಾಡಲಾಗಿದೆ;

(ಈ) ಇನ್ನೂ ಎಷ್ಟು ಗ್ರಾಮಗಳಲ್ಲಿ ಘನತ್ಯಾಜ್ಯ ವಿಲೇವಾರಿ ಬಗ್ಗೆ ಕ್ರಮ ಕೈಗೊಳ್ಳಬೇಕಾಗಿದೆ;

(ಉ) ಮುಂಬರುವ ದಿನಗಳಲ್ಲಿ ಇದೊಂದು ವಿಶೇಷ ಅಭಿಯಾನದ (Special Drive) ರೂಪದಲ್ಲಿ ಪ್ರಧಾನ ಮಂತ್ರಿ ಸ್ವಚ್ಛ ಭಾರತ ಅಭಿಯಾನದ ಅಡಿಯಲ್ಲಿ ತೆಗೆದುಕೊಂಡು ಸಾಧನೆ ಮಾಡಲು ಇರುವ ಸಮಸ್ಯೆಗಳೇನು?